ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಮಂಗಳವಾರ, ದಿನಾಂಕ: 22ನೇ ಸೆಪ್ಟಂಬರ್, 2020

ಸಹಕಾರ ಬ್ಯಾಂಕ್ ಹಾಗೂ ಪ್ರಾಥಮಿಕ ಕೃಷಿ ಪತ್ತಿನಿಂದ ರೈತರಿಗೆ ಸಾಲ ವಿತರಣೆಯಲ್ಲಿ ಆಗುತ್ತಿರುವ ತಾರತಮ್ಯಗಳ ಬಗ್ಗೆ

ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

170 (166) ಮಾನ್ಯ ಸಹಕಾರ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಹಾಸನ ಜಿಲ್ಲಾ ಕೇಂದ್ರ ಸಹಕಾರ ಬ್ಯಾಂಕ್ ನಿಯಮಿತ ಮತ್ತು ಇದರ ಅಧೀನದಲ್ಲಿರುವ ಪ್ರಾಥಮಿಕ ಕೃಷಿ ಪತ್ತಿನ ಸಹಕಾರ ಸಂಘಗಳು ರೈತರಿಗೆ ಸಾಲ ವಿತರಣೆ ಮಾಡುವಾಗ ಸರ್ಕಾರದ ಮಾರ್ಗಸೂಚಿಗಳನ್ನು ಪಾಲನೆ ಮಾಡದೆ ತಾರತಮ್ಯ ನೀತಿ ಅನುಸರಿಸುತ್ತಿರುವುದರಿಂದ ರೈತರಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಇಂತಹ ಎಷ್ಟು ಪ್ರಕರಣಗಳು ಬೆಳಕಿಗೆ ಬಂದಿವೆ; ಇಂತಹ ಪ್ರಕರಣಗಳಲ್ಲಿ ಭಾಗಿಯಾಗಿರುವವರ ವಿರುದ್ಧ ಯಾವ ಕ್ರಮಗಳನ್ನು ಕೈಗೊಳ್ಳಲಾಗಿದೆ; (ಪ್ರಕರಣವಾರು ಮಾಹಿತಿ ನೀಡುವುದು)

(ಆ) ಜಿಲ್ಲಾ ಕೇಂದ್ರ ಸಹಕಾರ ಬ್ಯಾಂಕ್ ನಿಯಮಿತ ಮತ್ತು ಇದರ ಅಧೀನದಲ್ಲಿರುವ ಪ್ರಾಥಮಿಕ ಕೃಷಿ ಪತ್ತಿನ ಸಹಕಾರ ಸಂಘಗಳಿಂದ ಯಾವಯಾವ ರೀತಿಯ ಸಾಲಗಳನ್ನು ರೈತರಿಗೆ ವಿತರಿಸಲಾಗುತ್ತಿದೆ; ಈಸಾಲಗಳನ್ನುನೀಡಲುಅನುಸರಿಸುತ್ತಿರುವ ಮಾನದಂಡಗಳೇನು; ಸಾಲ ವಿತರಣೆಯಲ್ಲಿ ಆಗುತ್ತಿರುವ ತಾರತಮ್ಯ ನಿವಾರಣೆಗೆ ಸರ್ಕಾರ ಕೈಗೊಂಡಿರುವ ಕ್ರಮಗಳೇನು; (ಸಂಪೂರ್ಣ ಮಾಹಿತಿ ನೀಡುವುದು)

(ಇ) ಹಾಸನ ಜಿಲ್ಲಾ ಕೇಂದ್ರ ಸಹಕಾರ ಬ್ಯಾಂಕ್ ನಿಯಮಿತ ಮತ್ತು ಇದರ ಅಧೀನದಲ್ಲಿರುವ ಪ್ರಾಥಮಿಕ ಕೃಷಿ ಪತ್ತಿನ ಸಹಕಾರ ಸಂಘಗಳು ಕಳೆದ 3 ವರ್ಷಗಳಲ್ಲಿ ವಿವಿಧ ಯೋಜನೆಗಳಡಿ ವಿತರಣೆ ಮಾಡಿರುವ ಸಾಲದ ಮೊತ್ತವೆಷ್ಟು ? (ಹೋಬಳಿವಾರು ಮತ್ತು ತಾಲ್ಲೂಕುವಾರು ಮಾಹಿತಿ ನೀಡುವುದು)